ಲಿಖಿತ ಮೂಲಕ ಉತ್ತರಿಸುವ

# ಕರ್ನಾಟಕ ವಿಧಾನ ಪರಿಷತ್ತು

ನೂರ ಮೂವತ್ತೆಂಟನೆಯ ಅಧಿವೇಶನ

ಗುರುವಾರ, ದಿನಾಂಕ: 18ನೇ ಜುಲೈ, 2019

ಅಕ್ರಮವಾಗಿ ಗಣಿಗಾರಿಕೆ ನಡೆಸುತ್ತಿರುವ ಬಗ್ಗೆ

ಶ್ರೀ ಎನ್. ಅಪ್ಪಾಜಿಗೌಡ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ) :-

288 (553) ಮಾನ್ಯ ಗಣಿ ಮತ್ತು ಭೂವಿಜ್ಞಾನ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಮಂಡ್ಯ ಜಿಲ್ಲೆ ವ್ಯಾಪ್ತಿಯಲ್ಲಿ ಎಷ್ಟು ಗಣಿಗಾರಿಕೆಗಳನ್ನು ಇಲಾಖೆಯಿಂದ ಪರವಾನಗಿ ಪಡೆದು ನಡೆಸಲಾಗುತ್ತಿದೆ ; ಎಷ್ಟು ಗಣಿಗಾರಿಕೆಗಳು ಪರವಾನಗಿ ಪಡೆಯದೆ ಅಕ್ರಮವಾಗಿ ನಡೆಯುತ್ತಿವೆ ; (ತಾಲ್ಲೂಕುವಾರು ಮಾಲೀಕರ ಹೆಸರು ಮತ್ತು ವಿಳಾಸದೊಂದಿಗೆ ಸಂಪೂರ್ಣ ವಿವರವಾದ ಮಾಹಿತಿ ನೀಡುವುದು)

(ಆ) ಅಕ್ರಮವಾಗಿ ಗಣಿಗಾರಿಕೆ ನಡೆಸುತ್ತಿರುವುದರಿಂದ ಸರ್ಕಾರದ ಬೊಕ್ಕಸಕ್ಕೆ ಹೆಚ್ಚು ನಷ್ಟ ಉಂಟಾಗುತ್ತಿಲ್ಲವೇ ; ಅಕ್ರಮವಾಗಿ ಗಣಿಗಾರಿಕೆ ನಡೆಸುತ್ತಿರುವವರ ವಿರುದ್ಧ ಯಾವ ರೀತಿಯ ಕ್ರಮಕೈಗೊಳ್ಳಲಾಗಿದೆ ; (ಸಂಪೂರ್ಣ ಮಾಹಿತಿ ನೀಡುವುದು)

(ಇ) ಗಣಿಗಾರಿಕೆಗಳು ನಿರಂತರವಾಗಿ ನಡೆಯುತ್ತಿರುವುದರಿಂದ ಈ ಪ್ರದೇಶದ ಸುತ್ತ-ಮುತ್ತ ವಾಸಿಸುವ ಗ್ರಾಮಸ್ಥರು ಮತ್ತು ರೈತರು ಅತೀವ ಸಂಕಷ್ಟ ಅನುಭವಿಸುತ್ತಿರುವುದರ ಬಗ್ಗೆ ಇಲಾಖೆಗೆ ದೂರುಗಳು ಬಂದಿಲ್ಲವೆ ; ಎಲ್ಲಾ ದೂರುಗಳ ಪ್ರತಿ ನೀಡುವುದು ; ಈ ದೂರುಗಳಿಗೆ ಕೈಗೊಂಡ ಕ್ರಮಗಳೇನು ? (ವಿವರಗಳ ಮಾಹಿತಿಯನ್ನು ಒದಗಿಸುವುದು)